ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 03 ನೇ ಮಾರ್ಚ್, 2020

ಸ್ಥಳೀಯ ಸಂಸ್ಥೆಗಳಿಗೆ ಚುನಾವಣೆ ನಡೆದು 18 ತಿಂಗಳು ಕಳೆದ ಬಗ್ಗೆ

ಶ್ರೀ ಐವನ್ ಡಿ'ಸೋಜಾ (ನಾಮನಿರ್ದೇಶನ ಹೊಂದಿದವರು) :-

123 (195) ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಸ್ಥಳೀಯ ಸಂಸ್ಥೆಗಳಿಗೆ ಚುನಾವಣೆ ನಡೆದು 18 ತಿಂಗಳು ಕಳೆದರೂ ಆಡಳಿತ ಮಂಡಳಿಯ ಅಧ್ಯಕ್ಷ ಮತ್ತು ಉಪಾಧ್ಯಕ್ಷ ಚುನಾವಣೆ ನಡೆಸದಿರಲು ಕಾರಣಗಳೇನು ; ಈ ಬಗ್ಗೆ ಸರ್ಕಾರ ಕೈಗೊಂಡಿರುವ ಕ್ರಮಗಳೇನು ;

(ಆ) ಸ್ಥಳೀಯ ಸಂಸ್ಥೆಗಳಿಗೆ ಆಡಳಿತ ಮಂಡಳಿ ಅಧ್ಯಕ್ಷ ಮತ್ತು ಉಪಾಧ್ಯಕ್ಷ ಮೀಸಲಾತಿಯನ್ನು ಬಗೆಹರಿಸಲು ಸರ್ಕಾರಕ್ಕಿರುವ ತೊಂದರೆಗಳೇನು ;

(ಇ) ರಾಜ್ಯದಲ್ಲಿ ಎಷ್ಟು ಗ್ರಾಮ ಪಂಚಾಯತ್‌ಗಳನ್ನು ನಗರ ಪಂಚಾಯತ್ ಗಳನ್ನಾಗಿ, ನಗರ ಸಭೆಗಳನ್ನು ಪುರಸಭೆಗಳನ್ನಾಗಿ ಮೇಲ್ದರ್ಜೆಗೇರಿಸಲು ಸರ್ಕಾರದ ಮುಂದಿರುವ ಪ್ರಸ್ತಾವನೆಗಳಾವುವು; (ವಿವರ ನೀಡುವುದು)

(ಈ) 2017-18, 2018-19 ಮತ್ತು 2019-20ನೇ ಸಾಲಿನಲ್ಲಿ ಸ್ಥಳೀಯ ಸಂಸ್ಥೆಗಳಿಗೆ ಸರ್ಕಾರದಿಂದ ಬಿಡುಗಡೆಗೊಳಿಸಿದ ಅನುದಾನ ಎಷ್ಟು ? (ವಿವರ ನೀಡುವುದು)